ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 19 ನೇ ಮಾರ್ಚ್, 2020

ವಸತಿ ಪ್ರದೇಶಗಳಲ್ಲಿ ವಾಣಿಜ್ಯ ವ್ಯವಹಾರ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನಸಭೆಯಿಂದ ಚುನಾಯಿತರಾದವರು) :-

1323 (1458) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೆಂಗಳೂರು ಮಹಾನಗರ ವ್ಯಾಪ್ತಿಯ ವಸತಿ ಪ್ರದೇಶಗಳಲ್ಲಿ ವಾಣಿಜ್ಯ ಚಟುವಟಿಕೆ ನಡೆಸಲು ಇರುವ ನಿಯಮಗಳೇನು; ವಸತಿ ಪ್ರದೇಶದಲ್ಲಿರುವ ಅನಧಿಕೃತ ಮಳಿಗೆ ಮುಚ್ಚಿಸಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಆ) ಕೋರಮಂಗಲದ ವಸತಿ ಪ್ರದೇಶಗಳಲ್ಲಿ ವಾಣಿಜ್ಯ ಪರವಾನಿಗೆ ಪಡೆದು ವ್ಯವಹಾರ ನಡೆಸುತ್ತಿರುವ ಸಂಸ್ಥೆಗಳ ಸಂಖ್ಯೆ ಎಷ್ಟು; ವಾಹನ ನಿಲುಗಡೆ ಪ್ರದೇಶದಲ್ಲಿ ವಾಣಿಜ್ಯ ಚಟುವಟಿಕೆ ನಡೆಸುತ್ತಿರುವ ಸಂಸ್ಥೆಗಳ ವಿವರ ನೀಡುವುದು;

(ಇ) ಕೋರಮಂಗಲ/ಇಂದಿರಾನಗರ ವಸತಿ ಪ್ರದೇಶದಲ್ಲಿ ವಾಣಿಜ್ಯ ಪರವಾನಿಗೆ ನೀಡಿರುವುದರ ವಿರುದ್ಧ ನ್ಯಾಯಾಲಯಗಳಲ್ಲಿ ದಾಖಲಾಗಿರುವ ಪ್ರಕರಣಗಳ ಸಂಖ್ಯೆ ಎಷ್ಟು ; (ವಿವರ ನೀಡುವುದು)

(ಈ) ನ್ಯಾಯಾಲಯದಲ್ಲಿ ಪ್ರಕರಣ ದಾಖಲಾದ ಮೇಲೆ ವಾಣಿಜ್ಯ ವ್ಯವಹಾರ ನಡೆಸುವುದರ ಪರವಾಗಿ ಯಾವುದೇ ಆದೇಶ ಇರದಿದ್ದರೂ ವಾಣಿಜ್ಯ ವ್ಯವಹಾರ ನಡೆಸುತ್ತಿರುವ ಸಂಸ್ಥೆಗಳ ಮೇಲೆ ಸರ್ಕಾರ ಯಾವ ಕ್ರಮಕೈಗೊಂಡಿದೆ?